ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತೊಂದನೆಯ ಅಧಿವೇಶನ

ಸೋಮವಾರ, ದಿನಾಂಕ : 21 ನೇ ಸೆಪ್ಟೆಂಬರ್, 2020

ಕೋವಿಡ್-19 ಲಾಕ್‌ಡೌನ್ ಸಮಯದಲ್ಲಿ ಕಾರ್ಮಿಕರ ಸಂಕಷ್ಟಗಳ ಬಗ್ಗೆ

ಶ್ರೀ ಎನ್. ಅಪ್ಪಾಜಿಗೌಡ(ಸ್ಥಳೀಯ ಸಂಸ್ಥೆಗಳ ಕ್ಷೇತ್ರ) –

08 (37) ಮಾನ್ಯ ಕಾರ್ಮಿಕ ಮತ್ತು ಸಕ್ಕರೆ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ –

(ಅ) ರಾಜ್ಯದ ಮೂಲೆ ಮೂಲೆಗಳಿಂದ ಲಕ್ಷಾಂತರ ಕಾರ್ಮಿಕರು ಬೆಂಗಳೂರಿಗೆ ಬಂದು ನೆಲೆಸಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಬಂದಿದ್ದಲ್ಲಿ, ಮಹಿಳೆಯರು ಮತ್ತು ಪುರುಷ ಕಾರ್ಮಿಕರೆಷ್ಟು; (ವಿವರ ನೀಡುವುದು)

(ಆ) ಕೋವಿಡ್-19 ಲಾಕ್‌ಡೌನ್ ಸಮಯದಲ್ಲಿ ಕಾರ್ಮಿಕರು ತೀವ್ರ ಸಂಕಷ್ಟಕ್ಕೆ ಒಳಗಾಗಿರುವುದು ನಿಜವೇ; ಹಾಗಿದ್ದಲ್ಲಿ, ಸರ್ಕಾರ ಕೈಗೊಂಡಿರುವ ಕ್ರಮಗಳೇನು; (ವಿವರ ನೀಡುವುದು)

(ಇ) ಬಡ ಕಾರ್ಮಿಕರ ಕುಟುಂಬಗಳಿಗೆ ನೆರವು ನೀಡಲು ಸರ್ಕಾರ ಹಾಕಿಕೊಂಡಿರುವ ಕ್ರಮಗಳೇನು; (ವಿವರ ನೀಡುವುದು)

(ಈ) ಸರ್ಕಾರವು ವಲಸೆ ಕಾರ್ಮಿಕರಿಗೆ ನೆರವಾಗಲು ಕೈಗೊಂಡಿರುವ ಯೋಜನೆಗಳನ್ನು ಯಾವಾಗ ಅನುಷ್ಠಾನಗೊಳಿಸಲಾಗುವುದು;

(ಉ) ಕಾರ್ಮಿಕರ ಸಂಕಷ್ಟ ನಿವಾರಿಸುವಲ್ಲಿ ಕಾರ್ಮಿಕರ ಕಲ್ಯಾಣನಿಧಿಯ ಪಾತ್ರವೇನು? (ವಿವರ ನೀಡುವುದು)